ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ : 130 (625)

ಸದಸ್ಯರ ಹೆಸರು : ಶ್ರೀ ಆರ್.ಪ್ರಸನ್ನ ಕುಮಾರ್

ಉತ್ತರಿಸಬೇಕಾದ ಸಚಿವರು : ಮಾನ್ಯ ಉಪ ಮುಖ್ಯಮಂತ್ರಿ, ಸಾರಿಗೆ ಸಚಿವರು

ಉತ್ತರಿಸಬೇಕಾಗಿದ್ದ ದಿನಾಂಕ : 25-07-2019

| ಕ್ರಮ ಸಂಖ್ಯೆ | ಪ್ರಶ್ನೆ | ಉತ್ತರ |
|---|---|---|
| (ಅ) | ರಾಜ್ಯದಲ್ಲಿನ ಜಿಲ್ಲಾ ಪ್ರಾದೇಶಿಕ ಸಾರಿಗೆ ಕಛೇರಿಗಳಲ್ಲಿ ಖಾಲಿ ಇರುವ ಹುದ್ದೆಗಳೆಷ್ಟು; (ಜಿಲ್ಲಾವಾರು ಮಾಹಿತಿ ನೀಡುವುದು) | ಸಾರಿಗೆ ಇಲಾಖೆಯಲ್ಲಿ ದಿನಾಂಕ:01-06-2019 ರಲ್ಲಿರುವಂತೆ ಪ್ರಾದೇಶಿಕ ಸಾರಿಗೆ ಕಛೇರಿಗಳಲ್ಲಿ ಜಿಲ್ಲಾವಾರು ಖಾಲಿ ಇರುವ ಹುದ್ದೆಗಳ ವಿವರವನ್ನು ಅನುಬಂಧ-1ರಲ್ಲಿ ನೀಡಲಾಗಿದೆ. |
| (ಆ) | ರಾಜ್ಯದ ಎಲ್ಲಾ ಜಿಲ್ಲಾ ಪ್ರಾದೇಶಿಕ ಸಾರಿಗೆ ಕಛೇರಿಗಳಲ್ಲಿ ಸಾರ್ವಜನಿಕರಿಗೆ ಕುಡಿಯುವ ನೀರು, ಶೌಚಾಲಯ ವ್ಯವಸ್ಥೆ ಇದೆಯೇ; ಇಲ್ಲದಿರುವ ಜಿಲ್ಲಾಗಳಾವುವು; (ವಿವರ ನೀಡುವುದು) | ರಾಜ್ಯದ ಎಲ್ಲಾ ಜಿಲ್ಲಾ ಪ್ರಾದೇಶಿಕ ಸಾರಿಗೆ ಅಧಿಕಾರಿಗಳ ಕಛೇರಿಗಳಲ್ಲಿ ಸಾರ್ವಜನಿಕರಿಗೆ ಕುಡಿಯುವ ನೀರು ಮತ್ತು ಶೌಚಾಲಯದ ವ್ಯವಸ್ಥೆಯನ್ನು ಒದಗಿಸಲಾಗಿದೆ. |
| (ಇ) | ಶಿವಮೊಗ್ಗ ಜಿಲ್ಲೆಯ ಜಿಲ್ಲಾ ಪ್ರಾದೇಶಿಕ ಸಾರಿಗೆ ಕಛೇರಿಗಳಲ್ಲಿ ದಿನಂಪ್ರತಿ ಬರುವ ಸಾರ್ವಜನಿಕರಿಗೆ ಕುಡಿಯುವ ನೀರು, ಶೌಚಾಲಯ ವ್ಯವಸ್ಥೆ ಸರಿಯಾಗಿ ಇಲ್ಲದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೆ; | ಶಿವಮೊಗ್ಗ ಜಿಲ್ಲೆಯ ಜಿಲ್ಲಾ ಪ್ರಾದೇಶಿಕ ಸಾರಿಗೆ ಕಛೇರಿಗೆ ಪ್ರತಿನಿತ್ಯ ಬರುವ ಸಾರ್ವಜನಿಕರಿಗೆ ಕುಡಿಯುವ ನೀರು ಮತ್ತು ಶೌಚಾಲಯದ ವ್ಯವಸ್ಥೆ ಸರಿಯಾಗಿರುತ್ತದೆ. |
| ಈ) | ಇಂತಹ ಸೌಲಭ್ಯಗಳನ್ನು ಒದಗಿಸಲು ಎಲ್ಲಾ ಜಿಲ್ಲಾ ಸಾರಿಗೆ ಕಛೇರಿಗಳಿಗೆ ಪ್ರಸ್ತುತ ಸಾಲಿನಲ್ಲಿ ಬಿಡುಗಡೆ ಮಾಡಲಾದ ಅನುದಾನವೆಷ್ಟು; (ವಿವರ ನೀಡುವುದು) | ನೀರು ಮತ್ತು ಶೌಚಾಲಯ ವ್ಯವಸ್ಥೆಗಾಗಿ ವಿಶೇಷ ಅನುದಾನ ಒದಗಿಸಿರುವುದಿಲ್ಲ. ಸಾಮಾನ್ಯ ವೆಚ್ಚಗಳ ಅಡಿಯಲ್ಲಿ ಒದಗಿಸಿರುವ ಅನುದಾನದಿಂದ ಮೂಲಭೂತ ಸೌಕರ್ಯಗಳನ್ನು ಒದಗಿಸಲಾಗುವುದು. |
| ಉ) | ಶಿವಮೊಗ್ಗ ಜಿಲ್ಲಾ ಪ್ರಾದೇಶಿಕ ಅಧಿಕಾರಿ ಸ್ಥಾನ ಖಾಲಿ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಖಾಲಿ ಇದ್ದಲ್ಲಿ, ಅದನ್ನು ತುಂಬಲು ಕೈಗೊಂಡ ಕ್ರಮವೇನು? | ಶಿವಮೊಗ್ಗ ಕಛೇರಿಯಲ್ಲಿ ಖಾಲಿ ಇದ್ದ ಪ್ರಾದೇಶಿಕ ಸಾರಿಗೆ ಅಧಿಕಾರಿ ಹುದ್ದೆಯನ್ನು ತುಂಬಲಾಗಿದೆ. |

ಟಿಡಿ 15 ಟಿಡಿಕ್ಯೂ 2019

(ಲಕ್ಷ್ಮಣ್ ಸಂಗಪ್ಪ ಸವದಿ)
ಉಪ ಮುಖ್ಯಮಂತ್ರಿ ಹಾಗೂ ಸಾರಿಗೆ ಸಚಿವರು.